

# ಕರ್ನಾಟಕ  ವಿಧಾನ ಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ :    22-03-2021    ಪ್ರಶ್ನೆ ಸಂಖ್ಯೆ :    1535 (1748)

ಸದಸ್ಯರ ಹೆಸರು ಮತ್ತು ಕ್ಷೇತ್ರ :    ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ :    22-03-2021

ಉತ್ತರಿಸುವ ಸಚಿವರು :    ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು

ವಿಷಯ :    ಕೋವಿಡ್ ನಿಯಂತ್ರಣಕ್ಕಾಗಿ ಹೊರಗುತ್ತಿಗೆ ನೌಕರರ ನೇಮಕದ ಕುರಿತು

(ಅ) ಕೋವಿಡ್ ನಿಯಂತ್ರಣಕ್ಕಾಗಿ ಹಾಸನ ಜಿಲ್ಲೆಯಲ್ಲಿ ಹೊರಗುತ್ತಿಗೆ ಆಧಾರದ ಮೇಲೆ ಯಾವ ಯಾವ ಕೆಲಸಗಳಿಗೆ ಎಷ್ಟು ಸಿಬ್ಬಂದಿಗಳನ್ನು ನೇಮಕ ಮಾಡಿಕೊಳ್ಳಲಾಗಿದೆ; ಇವರನ್ನು ಯಾವ ಯಾವ ಆಸ್ಪತ್ರೆಗಳಿಗೆ ನೇಮಕ ಮಾಡಲಾಗಿದೆ; (ಸಂಪೂರ್ಣ ಮಾಹಿತಿ ನೀಡುವುದು)

(ಆ) ಹೊರಗುತ್ತಿಗೆ ಆಧಾರದ ಮೇಲೆ ನೇಮಕಗೊಂಡಿರುವ ಸಿಬ್ಬಂದಿಗಳಿಗೆ ನಿಗದಿಪಡಿಸಿರುವ ವಿದ್ಯಾರ್ಹತೆ ಮತ್ತು ಸಂಬಳವೆಷ್ಟು; ಇವರನ್ನು ಯಾವ ಏಜೆನ್ಸಿಗಳ ಮೂಲಕ ಎಷ್ಟು ಕಾಲಾವಧಿಗೆ ನೇಮಕ ಮಾಡಿಕೊಳ್ಳಲಾಗಿದೆ; ಈ ಸಿಬ್ಬಂದಿಗಳನ್ನು ಕೋವಿಡ್-19 ನಿಯಂತ್ರಣಕ್ಕೆ ಬರುವವರೆಗೆ ಮುಂದುವರೆಸುವ ಬಗ್ಗೆ ಸರ್ಕಾರದ ನಿಲುವೇನು; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಹಾಸನ ಜಿಲ್ಲೆಯ ಸರ್ಕಾರಿ ಆಸ್ಪತ್ರೆಗಳಿಗೆ ಮಂಜೂರಾದ ವೈದ್ಯರು, ನರ್ಸ್‌ಗಳು, ಲ್ಯಾಬ್ ಟೆಕ್ನಿಷಿಯನ್ ಹುದ್ದೆಗಳೆಷ್ಟು; ಹಾಲಿ ತುಂಬಿರುವ ಹುದ್ದೆಗಳೆಷ್ಟು; ಖಾಲಿ ಇರುವ ಹುದ್ದೆಗಳೆಷ್ಟು; (ಆಸ್ಪತ್ರೆವಾರು ವಿವರ ನೀಡುವುದು) ಖಾಲಿ ಇರುವ ಹುದ್ದೆಗಳನ್ನು ಭರ್ತಿ ಮಾಡಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು ? (ವಿವರ ನೀಡುವುದು)